


# ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 25-03-2021 ಪ್ರಶ್ನೆ ಸಂಖ್ಯೆ : 1882 (2134)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಯು.ಬಿ. ವೆಂಕಟೇಶ್ (ನಾಮನಿರ್ದೇಶನ ಹೊಂದಿದವರು)

ಉತ್ತರ ನೀಡಬೇಕಾದ ದಿನಾಂಕ : 25-03-2021

ಉತ್ತರಿಸುವ ಸಚಿವರು: ಮಾನ್ಯ ಮುಖ್ಯಮಂತ್ರಿಗಳು

ವಿಷಯ : ಬೆಂಗಳೂರು ನಗರದ ರಸ್ತೆಗಳಲ್ಲಿರುವ ಗುಂಡಿಗಳ ಕುರಿತು

(ಅ) ಬೆಂಗಳೂರು ನಗರದ ರಸ್ತೆ ಗುಂಡಿಗಳಿಂದ ವಾಹನ ಸವಾರರು ಮತ್ತು ಪಾದಚಾರಿಗಳು ಅಪಘಾತಕ್ಕೀಡಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಸರ್ಕಾರ ಈ ಬಗ್ಗೆ ಕೈಗೊಂಡಿರುವ ಕ್ರಮಗಳೇನು;

(ಆ) ಬೆಂಗಳೂರು ನಗರದ ರಸ್ತೆಗಳಲ್ಲಿರುವ ಗುಂಡಿಗಳ ಸಂಖ್ಯೆ ಎಷ್ಟು; ಯಾವ ಯಾವ ರಸ್ತೆಯಲ್ಲಿ ಎಷ್ಟೆಷ್ಟು ಗುಂಡಿಗಳಿವೆ; ಇವುಗಳನ್ನು ಮುಚ್ಚಲು ಸರ್ಕಾರ ಕೈಗೊಂಡಿರುವ ಕ್ರಮಗಳೇನು;

(ಇ) ಈ ಗುಂಡಿಗಳಿಂದ ಅಪಘಾತಕ್ಕೀಡಾದವರಿಗೆ ಸರ್ಕಾರದಿಂದ ಪರಿಹಾರವನ್ನು ನೀಡಲಾಗುತ್ತಿದೆಯೇ; ಹಾಗಿದ್ದಲ್ಲಿ, ಎಷ್ಟು ಜನರಿಗೆ ಪರಿಹಾರವನ್ನು ನೀಡಲಾಗಿದೆ; ಇಲ್ಲವಾದಲ್ಲಿ, ಕಾರಣಗಳೇನು?